


# ಕರ್ನಾಟಕ ವಿಧಾನಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 30-03-2021 ಪ್ರಶ್ನೆ ಸಂಖ್ಯೆ : 2078(2411)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಹೆಚ್. ಎಂ. ರಮೇಶಗೌಡ(ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 30-03-2021

ಉತ್ತರಿಸುವ ಸಚಿವರು: ಮಾನ್ಯ ಪೌರಾಡಳಿತ ಮತ್ತು ಸಕ್ಕರೆ ಸಚಿವರು

ವಿಷಯ : ಸ್ಥಳೀಯ ಸಂಸ್ಥೆಗಳಲ್ಲಿ ತ್ಯಾಜ್ಯ ಸಂಸ್ಕರಣೆ ನಿಯಮ ಪಾಲನೆಯಾಗದಿರುವ ಬಗ್ಗೆ

(ಅ) ರಾಜ್ಯದ ಯಾವುದೇ ಸ್ಥಳೀಯ ಸಂಸ್ಥೆಗಳಲ್ಲೂ ತ್ಯಾಜ್ಯ ಸಂಸ್ಕರಣೆ ನಿಯಮ ಪಾಲನೆಯಾಗದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದನ್ನು ಸರಿಪಡಿಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು;

(ಆ) ರಾಜ್ಯದ ಸ್ಥಳೀಯ ಸಂಸ್ಥೆಗಳ ವ್ಯಾಪ್ತಿಯಲ್ಲಿ ಪ್ರತಿನಿತ್ಯ ಎಷ್ಟು ಘನತ್ಯಾಜ್ಯ ಸಂಗ್ರಹವಾಗುತ್ತಿದೆ ಹಾಗೂ ಅದನ್ನು ವೈಜ್ಞಾನಿಕ ರೀತಿಯಲ್ಲಿ ಪುನರ್ ಬಳಕೆ ಮಾಡಲು ಮತ್ತು ವಿಲೇವಾರಿ ಮಾಡಲು ಕೈಗೊಳ್ಳುತ್ತಿರುವ ಕ್ರಮಗಳೇನು;

(ಇ) ಸ್ಥಳೀಯ ಸಂಸ್ಥೆಗಳ ವ್ಯಾಪ್ತಿಯಲ್ಲಿ ತ್ಯಾಜ್ಯ ಸಂಗ್ರಹಣೆ ಮಾಡಲು ವಾಹನಗಳ ಕೊರತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ತ್ಯಾಜ್ಯ ಸಂಗ್ರಹಣೆಗಾಗಿ ಎಷ್ಟು ವಾಹನಗಳನ್ನು ಖರೀದಿಸಲಾಗಿದೆ; ಅವು ಯಾವ ನಗರ ಮತ್ತು ಪಟ್ಟಣಗಳಲ್ಲಿ ಕಾರ್ಯನಿರತವಾಗಿವೆ? (ವಿವರ ನೀಡವುದು)